ಲಿಖಿತ ಮೂಲಕ ಉತ್ತರಿಸುವ ಪ್ರಶ್ನೆ



ಕರ್ನಾಟಕ ವಿಧಾನ ಪರಿಷತ್ತು

ನೂರ ನಲವತ್ತನೆಯ ಅಧಿವೇಶನ

ಶುಕ್ರವಾರ, ದಿನಾಂಕ : 20 ನೇ ಮಾರ್ಚ್, 2020

ಹನೂರು ತಾಲ್ಲೂಕಿನ ಗ್ರಾಮೀಣ ರಸ್ತೆಗಳ ಅಭಿವೃದ್ಧಿ

ಶ್ರೀ ಎಸ್. ನಾಗರಾಜು (ಸಂದೇಶ್ ನಾಗರಾಜ್)(ಸ್ಥಳೀಯ ಸಂಸ್ಥೆಗಳ ಕ್ಷೇತ್ರ):-

1410 (1617) ಮಾನ್ಯ ಗ್ರಾಮೀಣಾಭಿವೃದ್ಧಿ ಮತ್ತು ಪಂಚಾಯತ್ ರಾಜ್ ಸಚಿವರು ಈ ವಿಷಯಗಳನ್ನು ದಯವಿಟ್ಟು ತಿಳಿಸುವರೆ:-

(ಅ) ಚಾಮರಾಜನಗರ ಜಿಲ್ಲೆ, ಮಲೆಮಹದೇಶ್ವರ ಬೆಟ್ಟ ಗ್ರಾಮಪಂಚಾಯಿತಿ ವ್ಯಾಪ್ತಿಯ ಪಡಸಲನತ್ತ, ಇಂಡಿಗನತ್ತ, ತೊಳಸಿಕೆರೆ, ನಾಗಮಲೆ, ದೊಡ್ಡಾಣೆ, ತೋಕೆರೆ, ಕೊಕ್ಕಬಕ್ಕರೆ, ಹಳೆಯೂರು ರಸ್ತೆಗಳು ಈಚೆಗೆ ಬಿದ್ದ ಮಳೆಯಿಂದ ಪೂರ್ತಿ ಹಾಳಾಗಿ ಸಂಚಾರಕ್ಕೆ ಯೋಗ್ಯವಾಗಿಲ್ಲದಿರುವುದು ಸರ್ಕಾರದ ಗಮನಕ್ಕೆ ಬಂದಿದೆಯೇ; ಬಂದಿದ್ದಲ್ಲಿ, ಕೂಡಲೇ ಈ ರಸ್ತೆಗಳನ್ನು ದುರಸ್ಥಿಗೊಳಿಸಿ, ಗಿಡಗಂಟೆಗಳನ್ನು ತೆರವುಗೊಳಿಸಿ ಸಾರ್ವಜನಿಕರಿಗೆ ಅನುಕೂಲ ಮಾಡಿಕೊಡಲಾಗುವುದೇ ;

(ಆ) ಹನೂರು ತಾಲ್ಲೂಕು, ಎಲ್ಲೆಮಾಳ ಗ್ರಾಮಪಂಚಾಯಿತಿ ವ್ಯಾಪ್ತಿಯ ಬಿ.ಎಂ.ಹಳ್ಳಿ (ಗೂಳ್ಯ) ಗ್ರಾಮಕ್ಕೆ ಸಂಪರ್ಕ ಕಲ್ಪಿಸುವ ರಸ್ತೆಯಲ್ಲಿರುವ ಹಳ್ಳಕ್ಕೆ ಸೇತುವೆ ನಿರ್ಮಿಸಿ ಎಲ್ಲೆಮಾಳ-ಗೂಳ್ಯ ರಸ್ತೆಯನ್ನು ಅಭಿವೃದ್ಧಿಪಡಿಸಲು ಕ್ರಮ ತೆಗೆದುಕೊಳ್ಳಲಾಗುವುದೇ ?